

# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 2187
ಮಾನ್ಯ ಸದಸ್ಯರ ಹೆಸರು : ಶ್ರೀ ಸಲೀಂ ಅಹಮದ್
ಉತ್ತರಿಸುವ ದಿನಾಂಕ : 18-03-2022
ಉತ್ತರಿಸುವ ಸಚಿವರು : ಸಮಾಜ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು.

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ವಿದ್ಯಾಕಾಶಿ ಎಂದು ಹೆಸರಾಗಿರುವ ಧಾರವಾಡದಲ್ಲಿ ವ್ಯಾಸಂಗ ಮಾಡುತ್ತಿರುವ ಎಲ್ಲಾ ವಿದ್ಯಾರ್ಥಿಗಳಿಗೆ ವಿದ್ಯಾರ್ಥಿ ನಿಲಯಗಳಲ್ಲಿ ಪ್ರವೇಶ ನೀಡದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ: | ಬಂದಿದೆ. |
| ಆ) | ಬಂದಿದ್ದಲ್ಲಿ, ಎಷ್ಟು ವಿದ್ಯಾರ್ಥಿಗಳಿಗೆ ಪ್ರವೇಶ ನಿರಾಕರಿಸಲಾಗಿದೆ: ಮತ್ತು ಎಷ್ಟು ವಿದ್ಯಾರ್ಥಿಗಳಿಗೆ ಪ್ರವೇಶ ನೀಡಲಾಗಿದೆ: (ಮಾಹಿತಿ ನೀಡುವುದು) | ಧಾರವಾಡ ಜಿಲ್ಲೆಯಲ್ಲಿನ ಇಲಾಖೆಯ ವಿದ್ಯಾರ್ಥಿನಿಲಯಗಳಿಗೆ ಪ್ರವೇಶ ಕೋರಿ ಅರ್ಜಿ ಸಲ್ಲಿಸಿರುವ ಎಲ್ಲಾ ಅರ್ಹ ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡದ ವಿದ್ಯಾರ್ಥಿಗಳಿಗೆ ನಿಯಮಾನುಸಾರ ಪ್ರವೇಶ ನೀಡಲಾಗಿದ್ದು, ಪ್ರವೇಶ ನೀಡಲಾಗಿರುವ ವಿದ್ಯಾರ್ಥಿಗಳ ವಿವರ ಕೆಳಕಂಡಂತಿದೆ. (ಕೆಳಗಿನ ಪಟ್ಟಿ ನೋಡಿ) ಮೇಲ್ಕಂಡಂತೆ ಮೆಟ್ರಿಕ್ ನಂತರದ ವಿದ್ಯಾರ್ಥಿನಿಲಯಗಳಿಗೆ ಅರ್ಜಿಸಲ್ಲಿಸಿದ 4222 ಪರಿಶಿಷ್ಟ ಜಾತಿ/ಪರಿಶಿಷ್ಟ ವರ್ಗದ ವಿದ್ಯಾರ್ಥಿಗಳ ಪೈಕಿ ಪ್ರವೇಶ ಕೋರಿ ಬಂದ ಎಲ್ಲಾ ವಿದ್ಯಾರ್ಥಿಗಳಿಗೂ ನಿಲಯದಲ್ಲಿ ಪ್ರವೇಶ ಕಲ್ಪಿಸಲಾಗಿದ್ದು, ಬಾಕಿ ಉಳಿಕೆಯಾಗಿರುವ 1092 ಅರ್ಜಿಗಳು ವಿದ್ಯಾರ್ಥಿನಿಲಯಗಳಲ್ಲಿ ದಾಖಲಾತಿಗೆ ಹಾಜರಾಗದ ವಿದ್ಯಾರ್ಥಿಗಳಾಗಿರುತ್ತಾರೆ. ಉಳಿದಂತೆ ಹಿಂದುಳಿದ ವರ್ಗಗಳ 171 |

| ಕ್ರ. ಸಂ | ವಿವರ | ನಿಲಯಗಳ ಸಂಖ್ಯೆ | ಮಂಜೂರಾತಿ ಸಂಖ್ಯೆ | ಪ್ರವೇಶ ಕೋರಿ ಅರ್ಜಿ ಸಲ್ಲಿಸಿದ ವಿದ್ಯಾರ್ಥಿಗಳ ಸಂಖ್ಯೆ | ಪ್ರವೇಶ ಕಲ್ಪಿಸಲಾದ ವಿದ್ಯಾರ್ಥಿಗಳ ಸಂಖ್ಯೆ | | ಉಳಿಕೆಯಾದ ಅರ್ಜಿಗಳ ಸಂಖ್ಯೆ | |
|---|---|---|---|---|---|---|---|---|
| 1 | ಮೆಟ್ರಿಕ್ ಪೂರ್ವ ವಿದ್ಯಾರ್ಥಿ ನಿಲಯಗಳು | 14 | 950 | 535 | 535 | | | |
| 2 | ಮೆಟ್ರಿಕ್ ನಂತರದ ವಿದ್ಯಾರ್ಥಿ ನಿಲಯಗಳು | 16 | 1808 | 4674 | SC/ST | OBC | SC/ST | OBC |
| | | | | | 3130 | 281 | 1092 | 171 |
| | | | | | ಒಟ್ಟು:-3411 | | ಒಟ್ಟು:- 1263 | |

| | | |
|---|---|---|
| | | ವಿದ್ಯಾರ್ಥಿಗಳ ಅರ್ಜಿಗಳ ಶೇಕಡಾ 25% ಪ್ರವೇಶ ಮೀರಿದ ಅರ್ಜಿಗಳಾಗಿದ್ದು, ಸದರಿ ವಿದ್ಯಾರ್ಥಿಗಳಿಗೆ ಬೇರೆ ವಿದ್ಯಾರ್ಥಿನಿಲಯಗಳಲ್ಲಿ ಭರ್ತಿಯಾಗದ ಹಿಂದುಳಿದ ವರ್ಗದ ವಿದ್ಯಾರ್ಥಿಗಳ ಸ್ಥಾನಗಳನ್ನು ಜಿಲ್ಲಾ ಹಂತದಲ್ಲಿ ತಾತ್ಕಾಲಿಕವಾಗಿ ಸ್ಥಳಾಂತರ ಮಾಡಿಕೊಂಡು ಪ್ರವೇಶ ಕಲ್ಪಿಸಲಾಗುವುದು. |
| ಇ) | ದಲಿತ ಹಿಂದುಳಿದ ಹಾಗೂ ಅಲ್ಪಸಂಖ್ಯಾತ ಎಲ್ಲಾ ವಿದ್ಯಾರ್ಥಿಗಳಿಗೆ ಪ್ರವೇಶ ಕಲ್ಪಿಸಲಾಗಿದೆಯೇ: | 2013-14ನೇ ಸಾಲಿನ ಆಯವ್ಯಯ ಘೋಷಣೆಯಂತೆ ಸರ್ಕಾರದ ಸುತ್ತೋಲೆ ಸಂಖ್ಯೆ:ಸಕಇ 87 ಸಮನ್ವಯ 2013, ದಿನಾಂಕ: 20-07-2013 ರನ್ವಯ ಸಮಾಜ ಕಲ್ಯಾಣ ಇಲಾಖೆಯ ವಿದ್ಯಾರ್ಥಿನಿಲಯಗಳಿಗೆ ಪ್ರವೇಶ ಕೋರಿ ಅರ್ಜಿ ಸಲ್ಲಿಸುವ ಎಲ್ಲಾ ಅರ್ಹ ಪರಿಶಿಷ್ಟ ಜಾತಿ/ಪರಿಶಿಷ್ಟ ವರ್ಗದ ವಿದ್ಯಾರ್ಥಿಗಳಿಗೆ ವಿದ್ಯಾರ್ಥಿನಿಲಯದಲ್ಲಿ ಪ್ರವೇಶ ನೀಡಲಾಗುತ್ತಿದೆ.<br><br>ಮುಂದುವರೆದು, ಸರ್ಕಾರದ ಆದೇಶ ಸಂಖ್ಯೆ:ಸಕಇ 160 ಪಕವಿ 2018, ದಿನಾಂಕ:25-08-2018ರಂತೆ ಇಲಾಖೆಯ ಎಲ್ಲಾ ಮೆಟ್ರಿಕ್ ಪೂರ್ವ ಹಾಗೂ ಮೆಟ್ರಿಕ್ ನಂತರದ ವಿದ್ಯಾರ್ಥಿನಿಲಯಗಳಲ್ಲಿ ಹಿಂದುಳಿದ ವರ್ಗ ಹಾಗೂ ಅಲ್ಪಸಂಖ್ಯಾಂತರ ವಿದ್ಯಾರ್ಥಿಗಳಿಗೆ ಮಂಜೂರಾತಿ ಸಂಖ್ಯಾಬಲಕ್ಕೆ ಶೇಕಡ 25%ರಷ್ಟು ಸ್ಥಾನಗಳನ್ನು ಕಾಯ್ದಿರಿಸಲಾಗಿದೆ. ಅದರಂತೆ ಪ್ರವೇಶ ಕಲ್ಪಿಸಲು ಕ್ರಮವಹಿಸಲಾಗಿದೆ. ಪ್ರವೇಶ ಸಿಗದ ಹಿಂದುಳಿದ ವರ್ಗಗಳ ಮತ್ತು ಅಲ್ಪಸಂಖ್ಯಾತರ ವಿದ್ಯಾರ್ಥಿಗಳು ಹಿಂದುಳಿದ ವರ್ಗಗಳ ಕಲ್ಯಾಣ ಇಲಾಖೆ ಮತ್ತು ಅಲ್ಪಸಂಖ್ಯಾತರ ಇಲಾಖೆಯ ವಿದ್ಯಾರ್ಥಿನಿಲಯಗಳಲ್ಲಿ ನಿಯಾಮಾನುಸಾರ ಪ್ರವೇಶ ಪಡೆಯಬೇಕಾಗುತ್ತಿದೆ. |
| ಈ) | ಪ್ರವೇಶ ಕಲ್ಪಿಸದಿದ್ದಲ್ಲಿ, ಪ್ರವೇಶ ಕಲ್ಪಿಸಲು ಸರ್ಕಾರ ತೆಗೆದುಕೊಂಡಿರುವ ಕ್ರಮಗಳೇನು? | |

ಸಕಇ 232 ಪಕವಿ 2022

(ಕೋಟ ಶ್ರೀನಿವಾಸ ಪೂಜಾರಿ)
ಸಮಾಜ ಕಲ್ಯಾಣ ಮತ್ತು ಹಿಂದುಳಿದ
ವರ್ಗಗಳ ಕಲ್ಯಾಣ ಸಚಿವರು.